ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 02ನೇ ಮಾರ್ಚ್, 2020

ಬಾಲ ಕಾರ್ಮಿಕ ಪತ್ತೆ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ್ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

102 (142) ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯ ರಾಜಧಾನಿ ಬೆಂಗಳೂರಿನಲ್ಲಿ ದಿನನಿತ್ಯ ಬಾಲ ಕಾರ್ಮಿಕ ಪ್ರಕರಣಕ್ಕೆ ಸಂಬಂಧಪಟ್ಟಂತೆ ಮಕ್ಕಳ ಸಹಾಯವಾಣಿ ಸಂಖ್ಯೆ 1098ಕ್ಕೆ ಹಲವಾರು ಕರೆಗಳು ಬರುತ್ತಿದ್ದು, ಇದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ನಾನಾ ರಾಜ್ಯಗಳಿಂದ ಬರುವ ಜನರು ತಮ್ಮ ಜೊತೆಯಲ್ಲಿನ ಮಕ್ಕಳನ್ನು ಹೋಟೆಲ್, ಮನೆಗೆಲಸ, ಕಟ್ಟಡ ನಿರ್ಮಾಣ ಮುಂತಾದ ಹಲವಾರು ಕೆಲಸಗಳಲ್ಲಿ ದುಡಿಸಿಕೊಳ್ಳುತ್ತಿದ್ದು, ಈ ಕುರಿತು ಇಲಾಖೆ ಯಾವ ಕ್ರಮ ಕೈಗೊಂಡಿದೆ;

(ಇ) ಬಾಲ ಕಾರ್ಮಿಕ ನಿಷೇಧ ಕಾಯಿದೆ ಅಡಿಯಲ್ಲಿ ಈವರೆಗೆ ಬೆಂಗಳೂರಿನಲ್ಲಿ ಎಷ್ಟು ಪ್ರಕರಣಗಳು ದಾಖಲಾಗಿವೆ; ಎಷ್ಟು ಜನರಿಗೆ ಶಿಕ್ಷೆಯಾಗಿದೆ; (ವಿವರ ನೀಡುವುದು)

(ಈ) ಕಾರ್ಮಿಕ ಇಲಾಖೆಯು ಬಾಲಕಾರ್ಮಿಕ ಪದ್ಧತಿ ನಿರ್ಮೂಲನೆಗಾಗಿ ಈವರೆಗೆ ಹಮ್ಮಿಕೊಂಡಿರುವ ಕಾರ್ಯಕ್ರಮಗಳ ಕುರಿತು ಹೊರಡಿಸಲಾದ ಸುತ್ತೋಲೆಗಳನ್ನು ಒದಗಿಸುವುದು;

(ಉ) ರಾಜ್ಯದಲ್ಲಿ ಇಲ್ಲಿಯವರೆಗೆ ಎಷ್ಟು ಬಾಲ ಕಾರ್ಮಿಕ ಪ್ರಕರಣಗಳಲ್ಲಿ ಶಿಕ್ಷೆಯಾಗಿದೆ? (ಮಾಹಿತಿ ನೀಡುವುದು)